ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತೊಂದನೆಯ ಅಧಿವೇಶನ

ಸೋಮವಾರ, ದಿನಾಂಕ : 28 ನೇ ಸೆಪ್ಟೆಂಬರ್, 2020

ಕಾಡು ಪ್ರಾಣಿಗಳ ದಾಳಿಯ ಕುರಿತು

ಶ್ರೀ ಎನ್. ರವಿಕುಮಾರ್ (ವಿಧಾನ ಸಭೆಯಿಂದ ಚುನಾಯಿತರಾದವರು):-

845 (838) ಮಾನ್ಯ ಅರಣ್ಯ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ಕಳೆದ 3 ವರ್ಷಗಳಲ್ಲಿ ಕಾಡು ಪ್ರಾಣಿಗಳಿಂದ ದಾಳಿಗೊಳಗಾಗಿ ಮೃತರಾದವರ ಸಂಖ್ಯೆ ಎಷ್ಟು ; ಯಾವ ಪ್ರಾಣಿಗಳಿಂದ ದಾಳಿಗೊಳಗಾಗಿ ಮೃತರಾಗಿರುತ್ತಾರೆ ; (ಜಿಲ್ಲಾವಾರು ಮಾಹಿತಿ ನೀಡುವುದು)

(ಆ) ಕಾಡು ಪ್ರಾಣಿ ಮತ್ತು ಮಾನವ ಸಂಘರ್ಷವನ್ನು ತಡೆಯಲು ಸರ್ಕಾರ ಯಾವ ಕ್ರಮ ಕೈಗೊಂಡಿದೆ ; ಕಾಡು ಪ್ರಾಣಿಗಳ ದಾಳಿಯಿಂದ ಮೃತರಾದವರಿಗೆ ಎಷ್ಟು ಪರಿಹಾರ ನೀಡಲಾಗುತ್ತಿದೆ;

(ಇ) ಕಾಡು ಪ್ರಾಣಿಗಳಿಂದ ಹಾನಿಗೊಳಗಾದ ರೈತರ ಬೆಳೆಗಳಿಗೆ ಕಳೆದ ಎರಡು ವರ್ಷಗಳಲ್ಲಿ ನೀಡಿದ ಪರಿಹಾರವೆಷ್ಟು ; (ಜಿಲ್ಲಾವಾರು ಮಾಹಿತಿ ನೀಡುವುದು)

(ಈ) ಕಾಡು ಪ್ರಾಣಿಗಳು ನಾಡಿಗೆ ಬರದಿರುವಂತೆ ಕಾಡಿನಲ್ಲೇ ಯಥೇಚ್ಚ ಆಹಾರ ವಸ್ತುಗಳು ಕಾಡು ಪ್ರಾಣಿಗಳಿಗೆ ದೊರೆಯುವಂತೆ ಮಾಡಲು ಸರ್ಕಾರ ಯಾವ ಕ್ರಮ ಕೈಗೊಂಡಿದೆ ;

(ಉ) ಕಾಡು ಪ್ರಾಣಿಗಳ ದಾಳಿಯಿಂದ ರಕ್ಷಿಸಲು ಕಾಡಿನಂಚಿನ ಗ್ರಾಮಗಳನ್ನು ಸ್ಥಳಾಂತರಿಸುವ ಕುರಿತು ಸರ್ಕಾರದ ನಿಲುವೇನು?